ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆ



ಕರ್ನಾಟಕ ವಿಧಾನ ಪರಿಷತ್ತು

ನೂರ ನಲವತ್ತನೆಯ ಅಧಿವೇಶನ

ಶುಕ್ರವಾರ, ದಿನಾಂಕ : 13 ನೇ ಮಾರ್ಚ್, 2020

ಬೀದರ್ ಜಿಲ್ಲೆಯ ಸಾರಿಗೆ ಸೌಲಭ್ಯಗಳ ಬಗ್ಗೆ

ಶ್ರೀ ವಿಜಯ ಸಿಂಗ್(ಸ್ಥಳೀಯ ಸಂಸ್ಥೆಗಳ ಕ್ಷೇತ್ರ):-

901 (969) ಮಾನ್ಯ ಉಪ ಮುಖ್ಯಮಂತ್ರಿಗಳು ಹಾಗೂ ಸಾರಿಗೆ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ:-

(ಅ) ಕಲ್ಯಾಣ ಕರ್ನಾಟಕ ಬೀದರ್ ಜಿಲ್ಲೆಯಲ್ಲಿ ತಾಲ್ಲೂಕು ಮತ್ತು ಜಿಲ್ಲಾ ಕೇಂದ್ರಗಳಿಂದ ಗ್ರಾಮಗಳಿಗೆ ಸಾರಿಗೆ ಸೌಲಭ್ಯ ಇಲ್ಲದೇ ಸಾರ್ವಜನಿಕರಿಗೆ ತೊಂದರೆಯಾಗುತ್ತಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ ; ಬಂದಿದ್ದಲ್ಲಿ, ಯಾವ ಕ್ರಮ ಕೈಗೊಳ್ಳಲಾಗಿದೆ ;

(ಆ) ಬೀದರ್ ಜಿಲ್ಲೆಯ ಗ್ರಾಮಾಂತರ ಪ್ರದೇಶಗಳಿಂದ ಸಾರ್ವಜನಿಕರಿಗೆ ಹಾಗೂ ವಿದ್ಯಾರ್ಥಿಗಳಿಗೆ ಅನುಕೂಲವಾಗುವ ದಿಶೆಯಲ್ಲಿ ಯಾವ ಯಾವ ಪ್ರದೇಶಗಳಿಂದ ಸಾರಿಗೆ ಸೌಲಭ್ಯವನ್ನು ಒದಗಿಸಲಾಗಿದೆ; (ವಿವರ ಒದಗಿಸುವುದು)

(ಇ) ಬೀದರ್ ಜಿಲ್ಲೆಯ ಹಲವಾರು ಗ್ರಾಮಗಳು ಸಾರಿಗೆ ಸೌಲಭ್ಯದಿಂದ ವಂಚಿತವಾಗಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ ; ಹಾಗಿದ್ದಲ್ಲಿ, ಆ ಗ್ರಾಮಗಳ ಸಾರ್ವಜನಿಕರು ಹಾಗೂ ವಿದ್ಯಾರ್ಥಿಗಳಿಗೆ ಸಾರಿಗೆ ಸೌಲಭ್ಯವನ್ನು ಯಾವಾಗ ಪ್ರಾರಂಭಿಸಲಾಗುವುದು ; ಇದಕ್ಕೆ ಸಂಬಂಧಿಸಿದಂತೆ ಸರ್ಕಾರವು ಯಾವ ಕಾರ್ಯಕ್ರಮಗಳನ್ನು ಹಮ್ಮಿಕೊಳ್ಳಲಾಗಿದೆ ? (ವಿವರ ಒದಗಿಸುವುದು)